# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ

(ನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಗುರುವಾರ, ದಿನಾಂಕ 24ನೇ ಜುಲೈ, 2014

(ಸಮಯ: ಬೆಳಗ್ಗೆ 10.00 ಗಂಟೆಗೆ)

----

### 1. ಶಾಸನ ರಚನೆ

**ವಿಧೇಯಕವನ್ನು ಪರ್ಯಾಲೋಚಿಸುವುದು ಹಾಗೂ ಅಂಗೀಕರಿಸುವುದು**

**ಕರ್ನಾಟಕ ಕೆರೆ ಅಭಿವೃದ್ಧಿ ಪ್ರಾಧಿಕಾರ ವಿಧೇಯಕ, 2014**
**ಶ್ರೀ ಶಿವರಾಜ್ ಎಸ್. ತಂಗಡಗಿ (ಸಣ್ಣ ನೀರಾವರಿ ಸಚಿವರು) ಅವರು:-**

ಅ) 2014 ನೇ ಸಾಲಿನ ಕರ್ನಾಟಕ ಕೆರೆ ಅಭಿವೃದ್ಧಿ ಪ್ರಾಧಿಕಾರ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

### 2. ವರದಿಗಳನ್ನೊಪ್ಪಿಸುವುದು

1. ಶ್ರೀ ಎನ್.ಹೆಚ್. ಶಿವಶಂಕರ ರೆಡ್ಡಿ (ಉಪ ಸಭಾಧ್ಯಕ್ಷರು ಹಾಗೂ ಅಧ್ಯಕ್ಷರು, ಖಾಸಗಿ ಸದಸ್ಯರುಗಳ ವಿಧೇಯಕ ಹಾಗೂ ನಿರ್ಣಯಗಳ ಸಮಿತಿ) ಅವರು 2013-14ನೇ ಸಾಲಿನ ಸಮಿತಿಯ ಏಳನೇ ವರದಿಯನ್ನು ಒಪ್ಪಿಸುವುದು.

2. ಡಾ।। ಎ.ಬಿ. ಮಾಲಕರೆಡ್ಡಿ (ಅಧ್ಯಕ್ಷರು, ಅಧೀನ ಶಾಸನ ರಚನಾ ಸಮಿತಿ) ಅವರು 2013-14ನೇ ಸಾಲಿನ ಅಧೀನ ಶಾಸನ ರಚನಾ ಸಮಿತಿಯ ನಲವತ್ತೊಂದನೇ ವರದಿಯನ್ನೊಪ್ಪಿಸುವುದು.

### 3. ವಿತ್ತೀಯ ಕಾರ್ಯಕಲಾಪಗಳು

ಅ) 2014-15ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಗಳ ಮೇಲೆ ನಡೆದ ಚರ್ಚೆಗೆ ಸರ್ಕಾರದ ಉತ್ತರ ಮತ್ತು ಮತಕ್ಕೆ ಹಾಕುವುದು.

| ಬೇಡಿಕೆ ಸಂಖ್ಯೆ | ಬೇಡಿಕೆಯ ಹೆಸರು |
|---|---|
| 20 | ಲೋಕೋಪಯೋಗಿ |
| 21 | ಜಲಸಂಪನ್ಮೂಲ |

**ಪು.ತಿ.ನೋ.,**

ಆ) 2014-15ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಗಳ ಮಂಡನೆ, ಚರ್ಚೆ ಹಾಗೂ ಸರ್ಕಾರದ ಉತ್ತರ ಮತ್ತು ಮತಕ್ಕೆ ಹಾಕುವುದು.

| ಬೇಡಿಕೆ ಸಂಖ್ಯೆ | ಬೇಡಿಕೆಯ ಹೆಸರು |
|---|---|
| 23 | ಕಾರ್ಮಿಕ |
| 10 | ಸಮಾಜ ಕಲ್ಯಾಣ |
| 11 | ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ |
| 25 | ಕನ್ನಡ ಮತ್ತು ಸಂಸ್ಕೃತಿ |
| 09 | ಸಹಕಾರ |
| 27 | ಕಾನೂನು |
| 28 | ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ |
| 02 | ಪಶುಸಂಗೋಪನೆ ಮತ್ತು ಮೀನುಗಾರಿಕೆ |
| 19 | ನಗರಾಭಿವೃದ್ಧಿ |
| 16 | ವಸತಿ |
| 06 | ಮೂಲಭೂತ ಸೌಕರ್ಯಗಳ ಅಭಿವೃದ್ಧಿ |

## 4. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1. ಶ್ರೀಯುತರುಗಳಾದ ಜಗದೀಶ್ ಶೆಟ್ಟರ, ಆರ್. ಅಶೋಕ್, ವಿಶ್ವೇಶ್ವರ ಹೆಗಡೆ ಕಾಗೇರಿ, ಬಸವರಾಜ ಬೊಮ್ಮಾಯಿ ಮತ್ತು ಗೋವಿಂದ ಎಂ.ಕಾರಜೋಳ ಹಾಗೂ ಇತರರು ಪರಿಶಿಷ್ಟ ಜಾತಿ, ಪರಿಶಿಷ್ಟ ಪಂಗಡ, ಹಿಂದುಳಿದ ವರ್ಗಗಳು ಹಾಗೂ ಕೊಳಚೆ ನಿವಾಸಿಗಳಿಗೆ ರಾಜ್ಯ ಸರ್ಕಾರದಿಂದ ವಿವಿಧ ಯೋಜನೆಗಳಲ್ಲಿ ಆಗುತ್ತಿರುವ ಅನ್ಯಾಯ ಹಾಗೂ ಹಣ ಬಿಡುಗಡೆಯಲ್ಲಿ ಆಗುತ್ತಿರುವ ವಿಳಂಬದ ಬಗ್ಗೆ ಚರ್ಚೆ.

2. ಶ್ರೀಯುತರುಗಳಾದ ಹೆಚ್.ಡಿ.ಕುಮಾರಸ್ವಾಮಿ, ಜಿ.ಟಿ.ದೇವೇಗೌಡ, ವೈ.ಎಸ್.ವಿ. ದತ್ತ, ಕೆ.ಎಂ.ಶಿವಲಿಂಗೇಗೌಡ ಮತ್ತು ಎ.ಬಿ. ರಮೇಶ್ ಬಂಡಿಸಿದ್ದೇಗೌಡ ಮತ್ತು ಇತರರು ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ಹಾಗೂ ಸುತ್ತಮುತ್ತಲು ಇರುವ ಹಲವಾರು ಕೋಟಿ ರೂಪಾಯಿಗಳ ಬೆಲೆ ಬಾಳುವ ಸರ್ಕಾರಿ ಕೆರೆಗಳನ್ನು ಒತ್ತುವರಿ ಮಾಡಿರುವುದನ್ನು ತೆರವುಗೊಳಿಸಲು ಸರ್ಕಾರ ವಿಫಲಗೊಂಡಿರುವ ಬಗ್ಗೆ ಚರ್ಚೆ.

**ಪು.ತಿ.ನೋ.,**

೩. ಶ್ರೀಯುತರುಗಳಾದ ಜಗದೀಶ್ ಶೆಟ್ಟರ, ಎಸ್.ಸುರೇಶ್ ಕುಮಾರ್, ಗೋವಿಂದ ಎಂ.ಕಾರಜೋಳ, ವಿಶ್ವೇಶ್ವರ ಹೆಗಡೆ ಕಾಗೇರಿ ಮತ್ತು ಬಸವರಾಜ ಬೊಮ್ಮಾಯಿ ಹಾಗೂ ಇತರರು ಬೆಂಗಳೂರು ಅಭಿವೃದ್ಧಿ ಪ್ರಾದಿಕಾರದಲ್ಲಿ ಕೆಂಪೇಗೌಡ ಅಂತರರಾಷ್ಟ್ರೀಯ ವಿಮಾನ ನಿಲ್ದಾಣದ ಸುತ್ತಮುತ್ತಲಿನ ಪ್ರದೇಶ ಹಾಗೂ ಅರ್ಕಾವತಿ ಬಡಾವಣೆಯ ಜಮೀನನ್ನು ಡಿನೋಟಿಫಿಕೇಶನ್ ಮಾಡಿದ್ದು, ದಿನಾಂಕ: 25.11.2005ರ ಕರ್ನಾಟಕ ಉಚ್ಚ ನ್ಯಾಯಲಯದ ಆದೇಶವನ್ನು ಉಲ್ಲಂಘನೆ ಮಾಡಿ ಅರ್ಕಾವತಿ ಪರಿಷ್ಕೃತ ಯೋಜನೆಯ ಅಧಿಸೂಚನೆ ಹೊರಡಿಸಿರುವ ಬಗ್ಗೆ ಚರ್ಚೆ.

## 5. ಪ್ರಶ್ನೋತ್ತರ

**ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಇಪ್ಪತ್ತನಾಲ್ಕನೇ ಪಟ್ಟಿ**

**ಆ)**(i) ದಿನಾಂಕ 17.07.2014ರ ಹತ್ತೊಂಬತ್ತನೇ ಪಟ್ಟಿಯಿಂದ ತಡೆಹಿಡಿಯಲಾದ ಶ್ರೀ ತಿಪ್ಪರಾಜು ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 271(3740) : ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು

(ii) ದಿನಾಂಕ 17.07.2014ರ ಹತ್ತೊಂಬತ್ತನೇ ಪಟ್ಟಿಯಿಂದ ತಡೆಹಿಡಿಯಲಾದ ಶ್ರೀ ಹೆಚ್.ಡಿ. ರೇವಣ್ಣ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 277(1194) : ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು

(iii) ದಿನಾಂಕ 17.07.2014ರ ಹತ್ತೊಂಬತ್ತನೇ ಪಟ್ಟಿಯಿಂದ ತಡೆಹಿಡಿಯಲಾದ ಶ್ರೀ ಆರ್. ಜಗದೀಶ್ ಕುಮಾರ್ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 278(1634) : ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು

(iv)ದಿನಾಂಕ 17.07.2014ರ ಹತ್ತೊಂಬತ್ತನೇ ಪಟ್ಟಿಯಿಂದ ತಡೆಹಿಡಿಯಲಾದ ಶ್ರೀ ವಡ್ನಾಳ್ ರಾಜಣ್ಣ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 281(3929) : ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು

(v)ದಿನಾಂಕ 17.07.2014ರ ಹತ್ತೊಂಬತ್ತನೇ ಪಟ್ಟಿಯಿಂದ ತಡೆಹಿಡಿಯಲಾದ ಶ್ರೀ ಅರವಿಂದ ಲಿಂಬಾವಳಿ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 284(2732) : ವೈದ್ಯಕೀಯ ಶಿಕ್ಷಣ ಸಚಿವರು

**ಇ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಇಪ್ಪತ್ತನಾಲ್ಕನೇ ಪಟ್ಟಿ**

**ಮು.ತಿ.ನೋ.,**

## 6. ಖಾಸಗಿ ಸದಸ್ಯರ ಕಾರ್ಯಕಲಾಪಗಳು

***ಶ್ರೀ ಕೆ.ಗೋಪಾಲಯ್ಯ, ಅವರು ಕೆಳಕಂಡ ನಿರ್ಣಯವನ್ನು ಮಂಡಿಸುವುದು.***

"ಕನ್ನಡ ಅಭಿವೃದ್ಧಿ ಪ್ರಾಧಿಕಾರ 1994ರ ಕಾನೂನಿನ ಎರಡನೇ ಅಧ್ಯಾಯದಲ್ಲಿನ ಪ್ರಾಧಿಕಾರದ ಸಮಿತಿಯಲ್ಲಿ ಕೇಂದ್ರ ಸರ್ಕಾರದ ಮಹಾಲೆಕ್ಕಪಾಲಕರ ಕಛೇರಿ, ಅಂಚೆ ತಂತಿ, ರೈಲ್ವೆ, ರಾಷ್ಟ್ರೀಕೃತ ಬ್ಯಾಂಕ್ ಹಾಗೂ ಕೇಂದ್ರ ಸರ್ಕಾರಿ ಸ್ವಾಮ್ಯದ ಕೈಗಾರಿಕೆಗಳ ಪ್ರತಿನಿಧಿಗಳನ್ನು ನಾಮನಿರ್ದೇಶನ ಮಾಡಲು ಸೂಕ್ತ ತಿದ್ದುಪಡಿ ತರಲು ಸರ್ಕಾರವು ಅಗತ್ಯ ಕ್ರಮ ಕೈಗೊಳ್ಳುವ" ಬಗ್ಗೆ ಸದನವು ಸರ್ಕಾರವನ್ನು ಒತ್ತಾಯಿಸುತ್ತದೆ."

**ಪಿ.ಓಂಪ್ರಕಾಶ**
ಕಾರ್ಯದರ್ಶಿ

Raj N

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
(www.kar.nic.in/kla)